ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಗುರುವಾರ, ದಿನಾಂಕ : 10 ನೇ ಡಿಸೆಂಬರ್, 2020

ಕೋಲಾರ ಜಿಲ್ಲೆಯಲ್ಲಿ ಸರ್ಕಾರ ಗುರುತಿಸಿರುವ ಪ್ರವಾಸ ತಾಣಗಳ ಬಗ್ಗೆ

ಶ್ರೀ ಗೋವಿಂದ ರಾಜು(ವಿಧಾನಸಭೆಯಿಂದ ಚುನಾಯಿತರಾದವರು) –

297 (332) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ಕೋಲಾರ ಜಿಲ್ಲೆಯಲ್ಲಿ ಸರ್ಕಾರ ಗುರುತಿಸಿರುವ ಪ್ರವಾಸಿ ತಾಣಗಳು ಯಾವುವು; (ವಿವರಗಳನ್ನು ನೀಡುವುದು) ಇವುಗಳನ್ನು ರಾಜ್ಯ ಪ್ರವಾಸೋದ್ಯಮ ಇಲಾಖೆಯು ಪ್ರವಾಸಿ ತಾಣಗಳ ಪಟ್ಟಿಯಲ್ಲಿ ಸೇರ್ಪಡೆಗೊಳಿಸಿದೆಯೇ; (ಸಂಪೂರ್ಣ ಮಾಹಿತಿ ನೀಡುವುದು)

(ಆ) ಸರ್ಕಾರ ಗುರುತಿಸಿರುವ ಪ್ರವಾಸಿ ತಾಣಗಳ ಪೈಕಿ ಯಾವ ಯಾವ ಪ್ರವಾಸಿ ತಾಣಗಳನ್ನು ಅಭಿವೃದ್ಧಿಪಡಿಸಲಾಗಿದೆ; (ವಿವರಗಳನ್ನು ನೀಡುವುದು)

(ಇ) ಈ ಪ್ರವಾಸಿ ತಾಣಗಳ ಅಭಿವೃದ್ಧಿಗಾಗಿ ಕಳೆದ 3 ವರ್ಷಗಳಲ್ಲಿ ನಿಗದಿಪಡಿಸಿ ಬಿಡುಗಡೆ ಮಾಡಿ ವೆಚ್ಚ ಮಾಡಿರುವ ಅನುದಾನದ ಮೊತ್ತವೆಷ್ಟು; (ಸಂಪೂರ್ಣ ಮಾಹಿತಿ ನೀಡುವುದು)

(ಈ) ಕೋಲಾರ ಜಿಲ್ಲೆಯ ಅಂತರಗಂಗೆ ಬೆಟ್ಟಕ್ಕೆ ರಸ್ತೆ ನಿರ್ಮಿಸಲು ಕೋಲಾರ ಜಿಲ್ಲೆಯ ಪ್ರವಾಸೋದ್ಯಮ ಇಲಾಖೆಯಿಂದ ಸರ್ಕಾರಕ್ಕೆ ಪ್ರಸ್ತಾವನೆಯನ್ನು ಸಲ್ಲಿಸಲಾಗಿದೆಯೇ; ಹಾಗಿದ್ದಲ್ಲಿ, ಪ್ರಸ್ತಾವನೆಯು ಪ್ರಸ್ತುತ ಯಾವ ಹಂತದಲ್ಲಿದೆ; (ಪ್ರಸ್ತಾವನೆಯ ಪ್ರತಿಯನ್ನು ನೀಡುವುದು)

(ಉ) ಈ ರಸ್ತೆ ನಿರ್ಮಾಣ ಮಾಡುವುದರಿಂದ ಸಾರ್ವಜನಿಕರಿಗೆ ಹಾಗೂ ಪ್ರವಾಸಿಗರಿಗೆ ಅನುಕೂಲವಾಗುವುದಿಲ್ಲವೇ; ಹಾಗಿದ್ದಲ್ಲಿ, ರಸ್ತೆ ನಿರ್ಮಿಸಲು ಸರ್ಕಾರ ಕ್ರಮ ಕೈಗೊಳ್ಳುವುದೇ;

(ಊ) ಹಾಗಿದ್ದಲ್ಲಿ, ರಸ್ತೆ ನಿರ್ಮಾಣಕ್ಕಾಗಿ ಪ್ರಸಕ್ತ ಸಾಲಿನಲ್ಲಿಯೇ ಅನುದಾನವನ್ನು ನೀಡಿ ರಸ್ತೆ ಕಾಮಗಾರಿಯನ್ನು ಕೈಗೆತ್ತಿಕೊಳ್ಳಲಾಗುವುದೇ;

(ಋ) ಹಾಗಿದ್ದಲ್ಲಿ, ರಸ್ತೆ ಕಾಮಗಾರಿಯನ್ನು ಯಾವಾಗ ಪ್ರಾರಂಭಿಸಲಾಗುವುದು?